# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 1371

ಸದಸ್ಯರ ಹೆಸರು : ಶ್ರೀ ಅರವಿಂದ ಕುಮಾರ ಅರಳಿ (ವಿಧಾನ ಸಭೆಯಿಂದ ಚುನಾಯಿತರಾದವರು)

ಉತ್ತರಿಸುವ ದಿನಾಂಕ : 24-12-2021.

ಉತ್ತರಿಸುವವರು : ಮಾನ್ಯ ಗ್ರಾಮೀಣಾಭಿವೃಧ್ಧಿ ಮತ್ತು ಪಂಚಾಯತ್ ರಾಜ್ ಸಚಿವರು.

| ಕ್ರ.ಸಂ | ಪ್ರಶ್ನೆ | ಉತ್ತರ |
|---|---|---|
| (ಅ) | ಬೀದರ್ ಜಿಲ್ಲೆಯಲ್ಲಿರುವ ಗ್ರಾಮ ಪಂಚಾಯತ್ ಅಭಿವೃದ್ಧಿ ಅಧಿಕಾರಿಗಳ ಸಂಖ್ಯೆಯೆಷ್ಟು; ಖಾಲಿಯಿರುವ ಪಿ.ಡಿ.ಓಗಳ ಸಂಖ್ಯೆ ಎಷ್ಟು; | ಬೀದರ್ ಜಿಲ್ಲೆಯಲ್ಲಿರುವ ಗ್ರಾಮ ಪಂಚಾಯತ್ ಅಭಿವೃದ್ಧಿ ಅಧಿಕಾರಿಗಳ ಸಂಖ್ಯೆ – 145.<br><br>ಖಾಲಿಯಿರುವ ಗ್ರಾಮ ಪಂಚಾಯತ್ ಅಭಿವೃದ್ಧಿ ಅಧಿಕಾರಿಗಳ ಸಂಖ್ಯೆ – 40. |
| (ಆ) | ಪಿ.ಡಿ.ಓ.ಗಳು ಕಡಿಮೆ ಸಂಖ್ಯೆಯಲ್ಲಿದ್ದು, ಒಬ್ಬ ಪಿ.ಡಿ.ಓ. 2-4 ಪಂಚಾಯಿತಿಗೆ ಪ್ರಭಾರವಿರುವುದರಿಂದ ಜಿಲ್ಲೆಯ ಅಭಿವೃದ್ಧಿ ಕಾರ್ಯಗಳು ಕುಂಠಿತವಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಬಂದಿದೆ. |
| (ಇ) | ಬಂದಿದ್ದಲ್ಲಿ ಪಿ.ಡಿ.ಓ.ಗಳ ನೇಮಕ ಮಾಡಲು ಸರ್ಕಾರ ಕ್ರಮ ಕೈಗೊಳ್ಳುವುದೇ; ಇಲ್ಲವಾದಲ್ಲಿ ಕಾರಣಗಳೇನು? | ಬೀದರ್ ಜಿಲ್ಲೆಯಲ್ಲಿ 40 ಗ್ರಾಮ ಪಂಚಾಯತಿಗಳಲ್ಲಿ ಪಂಚಾಯತಿ ಅಭಿವೃದ್ಧಿ ಅಧಿಕಾರಿಗಳ ಕೊರತೆಯಿದ್ದು, ಪಂಚಾಯತಿ ಅಭಿವೃಧ್ಧಿ ಅಧಿಕಾರಿ ಹುದ್ದೆ ಖಾಲಿ ಇರುವ ಗ್ರಾಮ ಪಂಚಾಯತಿಗಳಲ್ಲಿ ಗ್ರೇಡ್-1 ಗ್ರಾಮ ಪಂಚಾಯತಿ ಕಾರ್ಯದರ್ಶಿ ನೌಕರರಿಗೆ ಪಂಚಾಯತಿ ಅಭಿವೃದ್ಧಿ ಅಧಿಕಾರಿ ಪ್ರಭಾರ ವಹಿಸಲಾಗುತ್ತಿದೆ. ಒಂದು ವೇಳೆ ಗ್ರೇಡ್-1 ಗ್ರಾಮ ಪಂಚಾಯತಿ ಕಾರ್ಯದರ್ಶಿ ಇರದಿದ್ದಲ್ಲಿ ಪಕ್ಕದ ಗ್ರಾಮ ಪಂಚಾಯತಿಯ ಪಂಚಾಯತಿ ಅಭಿವೃಧ್ಧಿ ಅಧಿಕಾರಿ ಅವರಿಗೆ ಹೆಚ್ಚುವರಿ ಪ್ರಭಾರ ವಹಿಸಲಾಗುತ್ತಿದೆ.<br><br>ಪಂಚಾಯತಿ ಅಭಿವೃದ್ಧಿ ಅಧಿಕಾರಿ ವೃಂದಕ್ಕೆ ಜಿಲ್ಲಾ ಪಂಚಾಯತಿಯ ಮುಖ್ಯ ಕಾರ್ಯನಿರ್ವಾಹಕ ಅಧಿಕಾರಿಯು ನೇಮಕಾತಿ ಪ್ರಾಧಿಕಾರವಾಗಿರುತ್ತಾರೆ. ಆದುದರಿಂದ ಎಲ್ಲಾ ಜಿಲ್ಲೆಗಳ ಮುಖ್ಯ ಕಾರ್ಯನಿರ್ವಾಹಕ ಅಧಿಕಾರಿ, ಜಿಲ್ಲಾ ಪಂಚಾಯತ್ ಇವರಿಗೆ ಗ್ರಾಮ ಪಂಚಾಯತಿ ಕಾರ್ಯದರ್ಶಿ ಗ್ರೇಡ್-1 ವೃಂದದ ಅರ್ಹ ನೌಕರರು ಲಭ್ಯವಾದಂತೆ ಜೇಷ್ಠತೆ ಮತ್ತು ಅರ್ಹತೆ ಆಧಾರದ ಮೇಲೆ ಮುಂಬಡ್ತಿ ಮೂಲಕ ಭರ್ತಿ ಮಾಡಲು ನಿರ್ದೇಶನ ನೀಡಲಾಗಿದೆ. |

ಸಂಖ್ಯೆ: ಗ್ರಾಅಪ 456 ಗ್ರಾಪಂಅ 2021

(ಕೆ.ಎಸ್. ಈಶ್ವರಪ್ಪ)
ಗ್ರಾಮೀಣಾಭಿವೃಧ್ಧಿ ಮತ್ತು ಪಂ.ರಾಜ್ ಸಚಿವರು.